# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## **ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 12-03-2021 ಪ್ರಶ್ನೆ ಸಂಖ್ಯೆ : 897 (934)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎನ್. ರವಿಕುಮಾರ್ (ವಿಧಾನ ಸಭೆಯಿಂದ ಚುನಾಯಿತರಾದವರು)

ಉತ್ತರ ನೀಡಬೇಕಾದ ದಿನಾಂಕ : 12-03-2021

ಉತ್ತರಿಸುವ ಸಚಿವರು : ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು

ವಿಷಯ : ಭಿಕ್ಷೆ ಬೇಡುವ ಮಕ್ಕಳ ಕುರಿತು

(ಅ) ರಸ್ತೆಯ ಸಿಗ್ನಲ್‌ಗಳಲ್ಲಿ ಭಿಕ್ಷೆ ಬೇಡುತ್ತಿರುವ ಮಕ್ಕಳ ಬಗ್ಗೆ ಸರ್ಕಾರ ಯಾವ ಕ್ರಮ ಕೈಗೊಂಡಿದೆ ;

(ಆ) ಹಲವಾರು ಹೆಣ್ಣು ಮಕ್ಕಳು ತಮ್ಮ ಕಂಕುಳಿನಲ್ಲಿ ಪುಟ್ಟ ಮಕ್ಕಳನ್ನು ಇರಿಸಿಕೊಂಡು ಮಳೆ, ಬಿಸಿಲು ಇದ್ದರೂ ರಸ್ತೆಯ ಸಿಗ್ನಲ್‌ಗಳಲ್ಲಿ ಭಿಕ್ಷೆ ಬೇಡುತ್ತಿರುವ ಹೆಣ್ಣು ಮಕ್ಕಳ ಕುರಿತು ಸರ್ಕಾರದ ನಿಲುವೇನು; ಈ ಭಿಕ್ಷಾಟನೆಯನ್ನು ನಿಲ್ಲಿಸಲು ಯಾವ ಕ್ರಮ ಕೈಗೊಳ್ಳಲಾಗಿದೆ;

(ಇ) ಕಂಕುಳಿನಲ್ಲಿ ಪುಟ್ಟ ಮಕ್ಕಳನ್ನು ಇರಿಸಿಕೊಂಡು ಭಿಕ್ಷೆ ಬೇಡುತ್ತಿರುವ ಹೆಣ್ಣು ಮಕ್ಕಳು ಅವರ ಕಂಕುಳಿನಲ್ಲಿರುವ ಪುಟ್ಟ ಮಕ್ಕಳನ್ನು ಎಲ್ಲಿಂದ ತಂದಿರುತ್ತಾರೆ ಎಂಬುದನ್ನು ಪರಿಶೀಲಿಸಲಾಗಿದೆಯೇ ;

(ಈ) ಕಳೆದ 5 ವರ್ಷಗಳಲ್ಲಿ ಪುಟ್ಟ ಮಕ್ಕಳನ್ನು ಕದ್ದು ತಂದು ಭಿಕ್ಷಾಟನೆ ನಡೆಸುತ್ತಿರುವಾಗ ಸಿಕ್ಕಿಬಿದ್ದ ಎಷ್ಟು ಮಕ್ಕಳನ್ನು ಅವರ ಹೆತ್ತವರಿಗೆ ಒಪ್ಪಿಸಲಾಗಿದೆ ?